

# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 780
ಸದಸ್ಯರ ಹೆಸರು : ಶ್ರೀ ಆರ್.ಬಿ. ತಿಮ್ಮಾಪೂರ
ಉತ್ತರಿಸುವ ದಿನಾಂಕ : 20-12-2021
ಉತ್ತರಿಸುವ ಸಚಿವರು : ಸಮಾಜ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು.

| ಕ್ರ. ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ಖಾಸಗಿ ಅನುದಾನ ರಹಿತ ಮತ್ತು ಅನುದಾನಿತ ಶಾಲಾ ಕಾಲೇಜುಗಳಲ್ಲಿ ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ವರ್ಗದ ಮಕ್ಕಳಿಗೆ ಸರ್ಕಾರದಿಂದ ನೀಡಲಾಗುತ್ತಿರುವ ವಿದ್ಯಾರ್ಥಿವೇತನ ದುರುಪಯೋಗವಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಖಾಸಗಿ ಅನುದಾನ ರಹಿತ ಮತ್ತು ಅನುದಾನಿತ ಶಾಲಾ ಕಾಲೇಜುಗಳಲ್ಲಿ ಪರಿಶಿಷ್ಟ ಜಾತಿ ಮಕ್ಕಳಿಗೆ ಮಂಜೂರು ಮಾಡಲಾಗುತ್ತಿರುವ ವಿದ್ಯಾರ್ಥಿವೇತನ ದುರುಪಯೋಗ ಆಗುತ್ತಿರುವ ಬಗ್ಗೆ ಯಾವುದೇ ದೂರುಗಳು ಕಂಡುಬಂದಿರುವುದಿಲ್ಲ. |
| ಆ) | ವಿದ್ಯಾರ್ಥಿವೇತನದ ಬಗ್ಗೆ ಶಾಲೆಗಳು ವಿದ್ಯಾರ್ಥಿಗಳಿಗೆ ಮಾಹಿತಿ ನೀಡದಿರುವುದು ಕಂಡು ಬಂದಿರುವುದು ನಿಜವೇ; | ವಿದ್ಯಾರ್ಥಿವೇತನ ಮಂಜೂರಾತಿ ಬಗ್ಗೆ ಶೈಕ್ಷಣಿಕ ವರ್ಷದ ಪ್ರಾರಂಭದಲ್ಲಿ ಎಲ್ಲಾ ರಾಜ್ಯ ಮಟ್ಟದ ದಿನಪತ್ರಿಕೆಗಳಲ್ಲಿ ಜಾಹೀರಾತು ನೀಡಲಾಗುತ್ತಿದೆ. ಜಿಲ್ಲಾವಾರು ಮತ್ತು ತಾಲ್ಲೂಕುವಾರು ಸ್ಥಳೀಯ ದಿನಪತ್ರಿಕೆಗಳಲ್ಲಿ ಜಾಹೀರಾತು ಪ್ರಕಟಣೆ ನೀಡಿ ಹೆಚ್ಚಿನ ಪ್ರಚಾರ ನೀಡಲಾಗುತ್ತಿದೆ. ಹಾಗೆಯೇ ತಾಲ್ಲೂಕು ಮಟ್ಟದಲ್ಲಿ ಕ್ಷೇತ್ರ ಶಿಕ್ಷಣಾಧಿಕಾರಿಗಳು, ಸಿ.ಆರ್.ಸಿ./ಬಿ.ಆರ್.ಸಿ. ಹಾಗೂ ಎಲ್ಲಾ ಶಾಲೆಗಳ ಮುಖ್ಯೋಪಾಧ್ಯಾಯರುಗಳ ಸಭೆ ಕರೆದು ವಿದ್ಯಾರ್ಥಿವೇತನ ಮಂಜೂರಾತಿ ಸಂಬಂಧ ಅರ್ಜಿಗಳ ಸ್ವೀಕಾರದ ಬಗ್ಗೆ ಮಾಹಿತಿ ನೀಡಿ ನಿಗಧಿತ ಅವಧಿಯೊಳಗೆ ಆನ್-ಲೈನ್‌ನಲ್ಲಿ ಅರ್ಜಿ ಸಲ್ಲಿಸಲು ತಿಳಿಸಲಾಗುತ್ತಿದೆ.<br>2020-21ನೇ ಸಾಲಿನಲ್ಲಿ ಮೆಟ್ರಿಕ್ ಪೂರ್ವ ವಿದ್ಯಾರ್ಥಿವೇತನ ಕಾರ್ಯಕ್ರಮದಡಿ ಒಟ್ಟು 8,82,248 ವಿದ್ಯಾರ್ಥಿಗಳಿಗೆ ಒಟ್ಟು ರೂ.134.72ಕೋಟಿಗಳ ಮೆಟ್ರಿಕ್ ಪೂರ್ವ ವಿದ್ಯಾರ್ಥಿವೇತನ ಮಂಜೂರು ಮಾಡಲಾಗಿದೆ. |
| ಇ) | ಈ ಬಗ್ಗೆ ಸರ್ಕಾರ ಕ್ರಮ ಕೈಗೊಂಡು ಸರ್ಕಾರದ ಸವಲತ್ತುಗಳನ್ನು ಅರ್ಹ ವಿದ್ಯಾರ್ಥಿಗಳಿಗೆ ಒದಗಿಸಲು ಸೂಕ್ತ ಸುತ್ತೋಲೆ ಮತ್ತು ಆದೇಶಗಳನ್ನು ಹೊರಡಿಸಿದೆಯೇ, ಹೊರಡಿಸದಿದ್ದಲ್ಲಿ ಯಾವಾಗ ಹೊರಡಿಸಲಾಗುವುದು? | ಈ ಬಗ್ಗೆ ಕಾಲಕಾಲಕ್ಕೆ ಸರ್ಕಾರದ ಆದೇಶಗಳನ್ನು ಹೊರಡಿಸಲಾಗಿದ್ದು, ಆದೇಶಗಳು/ ಸುತ್ತೋಲೆಗಳು/ ಕೇಂದ್ರ ಸರ್ಕಾರ ಮಾರ್ಗಸೂಚಿಗಳನ್ವಯ ವಿದ್ಯಾರ್ಥಿವೇತನ ಮಂಜೂರು ಮಾಡಲಾಗುತ್ತಿದೆ ಹಾಗೂ ಶಿಕ್ಷಣ ಸಂಸ್ಥೆಗಳಿಗೆ ಮಾಹಿತಿ ನೀಡಲಾಗುತ್ತಿದೆ. |

ಸಕಇ 516 ಪಕವಿ 2021

(ಕೋಟ ಶ್ರೀನಿವಾಸ ಪೂಜಾರಿ)
ಸಮಾಜ ಕಲ್ಯಾಣ ಮತ್ತು
ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು.